# ಕರ್ನಾಟಕ ವಿಧಾನ ಪರಿಷತ್ತು

| | | |
|---|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | : | 455 |
| ಸದಸ್ಯರ ಹೆಸರು | : | ಶ್ರೀಮತಿ ಎಸ್.ವೀಣಾ ಅಚ್ಚಯ್ಯ (ವಿಧಾನ ಸಭೆಯಿಂದ ಚುನಾಯಿತರಾದವರು) |
| ಉತ್ತರಿಸಬೇಕಾದ ದಿನಾಂಕ | : | 04.02.2021 |
| ಉತ್ತರಿಸುವ ಸಚಿವರು | : | ಮುಖ್ಯಮಂತ್ರಿಗಳು |

*****

| | ಪ್ರಶ್ನೆ | ಉತ್ತರ |
|---|---|---|
| ಅ) | ರಾಜ್ಯದಲ್ಲಿ ಕೃಷಿ ಉದ್ದೇಶಕ್ಕೆ ಬಳಕೆಯಾಗುವ ರೈತರ ಎಷ್ಟು ಅಶ್ವಶಕ್ತಿವರೆಗಿನ ಪಂಪ್‌ಸೆಟ್‌ಗಳಿಗೆ ಉಚಿತ ವಿದ್ಯುತ್ ಪೂರೈಕೆ ಮಾಡಲಾಗುತ್ತಿದೆ: | ವಿದ್ಯುತ್ ಸರಬರಾಜು ಕಂಪನಿಗಳ ವ್ಯಾಪ್ತಿಯಲ್ಲಿ 10 ಹೆಚ್.ಪಿ.ವರೆಗಿನ ಎಲ್.ಟಿ.-4(ಎ) ಜಕಾತಿಯಡಿ ಕೃಷಿ ನೀರಾವರಿ ಪಂಪ್‌ಸೆಟ್‌ಗಳಿಗೆ ಉಚಿತ ವಿದ್ಯುತ್ ಸೌಲಭ್ಯವನ್ನು ಒದಗಿಸಲಾಗುತ್ತಿದೆ. |
| ಆ) | ಕೊಡಗು ಜಿಲ್ಲೆಯಲ್ಲಿನ ಕಾಫಿ ಬೆಳೆಗಾರರು ಕಾಫಿ ಕೃಷಿ ಉದ್ದೇಶಕ್ಕೆ ಬಳಸುವ 10 ಅಶ್ವಶಕ್ತಿವರೆಗಿನ ಪಂಪ್ ಸೆಟ್‌ಗಳಿಗೆ ಉಚಿತ ವಿದ್ಯುತ್ ಪೂರೈಕೆ ಮಾಡಲಾಗುತ್ತಿದೆಯೇ: | ಚಾಮುಂಡೇಶ್ವರಿ ವಿದ್ಯುತ್ ಸರಬರಾಜು ನಿಗಮ ನಿಯಮಿತ ವ್ಯಾಪ್ತಿಯ ಕೊಡಗು ಜಿಲ್ಲೆಯಲ್ಲಿನ ಖಾಸಗಿ ತೋಟಗಾರಿಕೆ ನರ್ಸರಿಗಳು, ಕಾಫಿ, ಟೀ ಮತ್ತು ರಬ್ಬರ್ ಪ್ಲಾಂಟೇಷನ್‌ಗಳಲ್ಲಿ ಉಪಯೋಗಿಸುವ ಎಲ್ಲಾ ಸಾಮರ್ಥ್ಯದ ನೀರಾವರಿ ಪಂಪ್‌ಸೆಟ್‌ಗಳಿಗೆ ಕರ್ನಾಟಕ ವಿದ್ಯುಚ್ಛಕ್ತಿ ನಿಯಂತ್ರಣ ಆಯೋಗದ ಆದೇಶದನುಸಾರ ವಿದ್ಯುತ್ ಬಿಲ್ ಪಾವತಿಸುವಂತೆ ತಿಳಿಸಲಾಗುತ್ತಿದೆ. |
| ಇ) | ಇಲ್ಲದಿದ್ದಲ್ಲಿ, ಕಳೆದ ಹಲವಾರು ವರ್ಷಗಳಿಂದ ಸತತವಾಗಿ ಕಾಫಿ ಬೆಳೆ ಹಾಳಾದ ಕಾರಣದಿಂದಾಗಿ ಕೊಡಗಿನ ಕಾಫಿ ಬೆಳೆಗಾರರು ತೀವ್ರ ಆರ್ಥಿಕ ಸಂಕಷ್ಟಕ್ಕೆ ಸಿಲುಕಿರುವುದನ್ನು ಪರಿಗಣಿಸಿ, ಕೊಡಗು ಜಿಲ್ಲೆಯಲ್ಲಿನ ಕಾಫಿ ಬೆಳೆಗಾರರು ಬಳಸುವ 10 ಅಶ್ವಶಕ್ತಿವರೆಗಿನ ಪಂಪ್‌ಸೆಟ್‌ಗಳಿಗೆ ಉಚಿತ ವಿದ್ಯುತ್ ಪೂರೈಕೆ ಮಾಡಲು ಸರ್ಕಾರ ಕ್ರಮ ವಹಿಸುವುದೇ? | • ರಾಜ್ಯ ಸರ್ಕಾರವು 2020-21ನೇ ಸಾಲಿನ ಆಯವ್ಯಯ ಘೋಷಣೆಯಲ್ಲಿ "ಸಣ್ಣ ಮತ್ತು ಮಧ್ಯಮ ಕಾಫಿ ಮತ್ತು ಟೀ ಬೆಳೆಗಾರರ 10 ಹೆಚ್.ಪಿ. ವರೆಗಿನ ಪಂಪುಸೆಟ್ಟುಗಳ ವಿದ್ಯುತ್ ಶುಲ್ಕವನ್ನು ಮರು ಪಾವತಿಸಲು ಒಂದು ಯೋಜನೆಯನ್ನು ರೂಪಿಸಲಾಗುವುದು" ಎಂದು ಘೋಷಿಸಲಾಗಿದೆ.<br>• ಆದರೆ, ರಾಜ್ಯದಲ್ಲಿ ಕೋವಿಡ್-19 ನಿಂದ ಉಂಟಾಗಿರುವ ಆರ್ಥಿಕ ಪರಿಸ್ಥಿತಿಯನ್ನು ಸುಧಾರಿಸುವ ನಿಟ್ಟಿನಲ್ಲಿ ಸಂಪನ್ಮೂಲವನ್ನು ಕ್ರೋಢೀಕರಿಸಲು ವೆಚ್ಚದ ಬಾಬ್ತಿನಲ್ಲಿ ಮಿತವ್ಯಯವನ್ನು ಪಾಲಿಸುವುದು ಅನಿವಾರ್ಯವಾಗಿದೆ ಮತ್ತು ಈಗಾಗಲೇ ರೈತರಿಗೆ ಪಿ.ಎಂ.ಕೆ.ಎಸ್.ವೈ. ನಂತಹ ಹಲವು ಯೋಜನೆಗಳನ್ನು ಘೋಷಿಸಲಾಗಿರುವುದರಿಂದ ಸದರಿ ಘೋಷಣೆಯನ್ನು ಕೈಬಿಡಲಾಗಿರುತ್ತದೆ. |

ಸಂಖ್ಯೆ: ಎನರ್ಜಿ 17 ಇಬಿಎಸ್ 2021

(ಬಿ.ಎಸ್.ಯಡಿಯೂರಪ್ಪ)
ಮುಖ್ಯಮಂತ್ರಿ